

# ಕರ್ನಾಟಕ ವಿಧಾನಪರಿಷತ್ತು

ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

**ಚುಕ್ಕೆ ರಹಿತ ಪ್ರಶ್ನೆ**

ದಿನಾಂಕ : 04-03-2021 ಪ್ರಶ್ನೆ ಸಂಖ್ಯೆ : 585 (677)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ರಘುನಾಥ್‌ರಾವ್ ಮಲ್ಕಾಪುರೆ(ವಿಧಾನಸಭೆಯಿಂದ ಚುನಾಯಿತರಾದವರು)

ಉತ್ತರ ನೀಡಬೇಕಾದ ದಿನಾಂಕ : 04-03-2021

ಉತ್ತರಿಸುವ ಸಚಿವರು: ಮಾನ್ಯ ಜಲ ಸಂಪನ್ಮೂಲ ಸಚಿವರು

ವಿಷಯ : ವಿಧಾನಸಭಾ ಕ್ಷೇತ್ರಗಳಿಗೆ ಬಿಡುಗಡೆಯಾದ ಅನುದಾನದ ಕುರಿತು

(ಅ) ಕಳೆದ 3 ವರ್ಷಗಳಲ್ಲಿ ಬೀದರ್ ಜಿಲ್ಲೆಗಳ ವಿಧಾನಸಭಾ ಕ್ಷೇತ್ರಗಳ ಅಭಿವೃದ್ಧಿಗಾಗಿ ಸರ್ಕಾರದಿಂದ ಬಿಡುಗಡೆಯಾದ ಅನುದಾನವೆಷ್ಟು; (ವರ್ಷವಾರು, ಕಾಮಗಾರಿವಾರು, ಕ್ಷೇತ್ರವಾರು ಮಾಹಿತಿ ನೀಡುವುದು)

(ಆ) ವಿಧಾನಸಭಾ ಕ್ಷೇತ್ರಗಳಲ್ಲಿ ಯಾವ ಯಾವ ಯೋಜನೆಯಡಿ ಯಾವ ಯಾವ ಕಾಮಗಾರಿಗಳನ್ನು ಕೈಗೆತ್ತಿಕೊಳ್ಳಲಾಗಿದೆ; ಮತ್ತು ಯಾವ ಕಾಮಗಾರಿಗಳಿಗೆ ಎಷ್ಟು ಅನುದಾನವನ್ನು ನೀಡಲಾಗಿದೆ; (ಕ್ಷೇತ್ರವಾರು ವಿವರ ನೀಡುವುದು)

(ಇ) ಕೈಗೆತ್ತಿಕೊಂಡ ಕಾಮಗಾರಿಗಳನ್ನು ಯಾವ ಯಾವ ಸಂಸ್ಥೆಗಳಿಗೆ ಅಥವಾ ವ್ಯಕ್ತಿಗಳಿಗೆ ಗುತ್ತಿಗೆ ನೀಡಲಾಗಿದೆ; ಸದರಿ ಕಾಮಗಾರಿಗಳು ಯಾವ ಹಂತದಲ್ಲಿವೆ; (ವಿವರ ನೀಡುವುದು)

(ಈ) ಗುತ್ತಿಗೆದಾರರು ಕಾಮಗಾರಿಗಳನ್ನು ನಿಗದಿತ ಕಾಲಮಿತಿಯೊಳಗೆ ಪೂರ್ಣಗೊಳಿಸಿದ್ದಾರೆಯೇ; ಕಾಮಗಾರಿಗಳ ಗುಣಮಟ್ಟವನ್ನು ಪರೀಕ್ಷಿಸಲಾಗಿದೆಯೇ; ಅವುಗಳಿಗೆ ಸಂಬಂಧಿಸಿದಂತೆ ಯಾವುದಾದರು ದೂರುಗಳು ಬಂದಿದೆಯೇ; ಬಂದಿದ್ದಲ್ಲಿ, ಸರ್ಕಾರವು ಕೈಗೊಂಡ ಕ್ರಮಗಳೇನು?